ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಮಂಗಳವಾರ, ದಿನಾಂಕ : 17 ನೇ ಮಾರ್ಚ್, 2020

ಖಾಸಗಿ ಸಂಸ್ಥೆಗಳಲ್ಲಿ ಕನ್ನಡಿಗರಿಗೆ ಉದ್ಯೋಗ ದೊರೆಯದ ಬಗ್ಗೆ

ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

1057 (1278) ಮಾನ್ಯ ಬೃಹತ್ ಮತ್ತು ಮಧ್ಯಮ ಕೈಗಾರಿಕೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿ ಸ್ಥಾಪಿತವಾಗಿರುವ ದೊಡ್ಡ ದೊಡ್ಡ ಉದ್ಯಮಗಳಿಂದ ಸಾಕಷ್ಟು ಉದ್ಯೋಗಗಳು ಸೃಷ್ಟಿಯಾಗಿದ್ದರೂ ಸ್ಥಳೀಯರಿಗೆ ಉದ್ಯೋಗದ ಅವಕಾಶಗಳು ದೊರೆಯುತ್ತಿಲ್ಲವೆಂಬ ವರದಿ ಪ್ರಕಟವಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಖಾಸಗಿ ವಲಯದಲ್ಲಿ ಸ್ಥಳೀಯ ಕನ್ನಡಿಗರಿಗೆ ಉದ್ಯೋಗ ನೀಡುವ ಸಂಬಂಧ ಯಾವ ಕ್ರಮ ಕೈಗೊಳ್ಳಲಾಗಿದೆ ;

(ಇ) ಖಾಸಗಿ ವಲಯದ ಉದ್ಯೋಗದಲ್ಲಿ ಕನ್ನಡಿಗರಿಗೆ ಆಧ್ಯತೆ ನೀಡುವ ಮಸೂದೆ ಜಾರಿಗೆ ತರುವ ಪ್ರಸ್ತಾವ ಸರ್ಕಾರದ ಮುಂದಿದೆಯೇ; (ವಿವರ ನೀಡುವುದು)

(ಈ) ಕರ್ನಾಟಕದಲ್ಲಿ ಎಷ್ಟು ಇ-ಕಾಮರ್ಸ್ ಸಂಸ್ಥೆಗಳು ವ್ಯವಹಾರ ನಡೆಸುತ್ತಿವೆ ಮತ್ತು ಅಲ್ಲಿ ಕೆಲಸ ನಿರ್ವಹಿಸುತ್ತಿರುವ ಕಾರ್ಮಿಕರ ವಿವರ ನೀಡುವುದು?